ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೆರಡನೆಯ ಅಧಿವೇಶನ

ಶುಕ್ರವಾರ, ದಿನಾಂಕ: 11ನೇ ಡಿಸೆಂಬರ್, 2020

ವಿಶೇಷ ಚೇತನರಿಗೆ ಮಾಸಾಶನವನ್ನು ನೀಡುವಲ್ಲಿ ಆಗಿರುವ ವಿಳಂಬದ ಬಗ್ಗೆ

ಶ್ರೀ ಸುನೀಲ್ ಸುಬ್ರಮಣಿ ಎಂ.ಪಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ):-

474(398) ಮಾನ್ಯ ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಹಾಗೂ ವಿಕಲಚೇತನರ ಮತ್ತು ಹಿರಿಯ ನಾಗರಿಕರ ಸಬಲೀಕರಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ರಾಜ್ಯದಲ್ಲಿರುವ ವಿಶೇಷ ಚೇತನರ ಒಟ್ಟು ಸಂಖ್ಯೆ ಎಷ್ಟು; (ಜಿಲ್ಲಾವಾರು ವಿವರ ನೀಡುವುದು)

(ಆ) ವಿಶೇಷ ಚೇತನರಿಗೆ ನೀಡುವ ಮಾಶಾಸನವು ಕಳೆದ ಎಂಟು ತಿಂಗಳಿನಿಂದ ನಿಂತು ಹೋಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದಲ್ಲಿ, ಅದನ್ನು ಸರಿಪಡಿಸಲು ಸರ್ಕಾರ ಕೈಗೊಂಡ ಕ್ರಮಗಳೇನು; (ವಿವರ ನೀಡುವುದು)

(ಇ) ಇವರುಗಳು ಮಹಿಳಾ ಮತ್ತು ಮಕ್ಕಳ ಕಲ್ಯಾಣ ಇಲಾಖೆಯಡಿಯಲ್ಲಿ ಬರುವುದರಿಂದ ಇವರುಗಳಿಗೆ ಒಂದು ಸರ್ವೇ ಕಾರ್ಯವನ್ನು ಮಾಡಿ, ಹೋಬಳಿ ಮಟ್ಟದಲ್ಲಿ ಅದಾಲತ್‌ಗಳನ್ನು ನಡೆಸಿ ಅವರುಗಳ ಸಮಸ್ಯೆಗಳನ್ನು ಸರಿಪಡಿಸಲು ಸರ್ಕಾರ ಕೈಗೊಂಡ ಕ್ರಮಗಳೇನು? (ವಿವರ ನೀಡುವುದು)